

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 22-03-2021 ಪ್ರಶ್ನೆ ಸಂಖ್ಯೆ : 1549 (1882)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಮರಿತಿಬ್ಬೇಗೌಡ (ಶಿಕ್ಷಕರ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 22-03-2021

ಉತ್ತರಿಸುವ ಸಚಿವರು : ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು

ವಿಷಯ : ಮೈಸೂರು ಮತ್ತು ಬೆಂಗಳೂರು ಸಹ ಶಿಕ್ಷಕರ ಮುಂಬಡ್ತಿ ಸರಿಯಾಗಿ ಪಾಲನೆ ಮಾಡದೆ ಇರುವುದು

(ಅ) ಮೈಸೂರು ಮತ್ತು ಬೆಂಗಳೂರು ವಿಭಾಗದ ಪ್ರೌಢಶಾಲಾ ಸಹ ಶಿಕ್ಷಕರು ಮತ್ತು ತತ್ಸಮಾನ ವೃಂದದಿಂದ ಮುಖ್ಯ ಶಿಕ್ಷಕರು ಮತ್ತು ತತ್ಸಮಾನ ವೃಂದಕ್ಕೆ ಮುಂಬಡ್ತಿ ನೀಡುವಾಗ ಹಾಲಿ ಇರುವ ನಿಯಮ ಶೇಕಡ 25% ನೇರನೇಮಕಾತಿ ಹಾಗೂ ಶೇಕಡ 75% ಮುಂಬಡ್ತಿ ಕೋಟಾ ಸರಿಯಾಗಿ ಪಾಲನೆ ಮಾಡದೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; (ವಿವರ ನೀಡುವುದು)

(ಆ) ಹಾಗಾದರೆ, ಇದನ್ನು ಸರಿಪಡಿಸಲು ಸರ್ಕಾರ ಕೈಗೊಂಡ ಕ್ರಮಗಳೇನು; (ವಿವರಗಳನ್ನು ನೀಡುವುದು)

(ಇ) ಯಾವ ಕಾಲಮಿತಿಯಲ್ಲಿ ತಾರತಮ್ಯವನ್ನು ಸರಿಪಡಿಸಿ, ಮುಂಬಡ್ತಿ ಕೋಟಾಕ್ಕೆ ಆಗಿರುವ ಅನ್ಯಾಯವನ್ನು ಸರಿಪಡಿಸಲಾಗುವುದು?